ಸದನದಲ್ಲಿ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 02ನೇ ಮಾರ್ಚ್, 2020

ಕ್ಯಾನ್ಸರ್ ರೋಗ ಕುರಿತು

ಶ್ರೀ ಬಸವರಾಜ ಶಿವಲಿಂಗಪ್ಪ ಹೊರಟ್ಟಿ (ಶಿಕ್ಷಕರ ಕ್ಷೇತ್ರ)

10 (11) ವೈದ್ಯಕೀಯ ಶಿಕ್ಷಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಸಾವಿರಾರು ಮಂದಿ ಕ್ಯಾನ್ಸರ್ ಪೀಡಿತರಾಗಿ ಮರಣ ಹೊಂದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ರಾಜ್ಯದಲ್ಲಿ ಕಳೆದ 5 ವರ್ಷಗಳಲ್ಲಿ ಶೇ.25ರಷ್ಟು ಕ್ಯಾನ್ಸರ್ ರೋಗಿಗಳ ಪ್ರಮಾಣ ಹೆಚ್ಚುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸರ್ಕಾರ ಈ ಬಗ್ಗೆ ತೆಗೆದುಕೊಂಡ ಕ್ರಮಗಳೇನು ;

(ಇ) ರಾಜ್ಯವು ದೇಶದಲ್ಲಿಯೇ ಅತೀ ಹೆಚ್ಚು ಕ್ಯಾನ್ಸರ್ ರೋಗಿಗಳನ್ನು ಹೊಂದಿರುವುದು ನಿಜವೇ ; ಹಾಗಿದ್ದಲ್ಲಿ ರಾಜ್ಯದಲ್ಲಿ ಮಾತ್ರ ಕ್ಯಾನ್ಸರ್ ರೋಗದ ಪ್ರಮಾಣ ಹೆಚ್ಚಾಗಲು ಕಾರಣವೇನು ; ಈ ಬಗ್ಗೆ ಸರ್ಕಾರ ತೆಗೆದುಕೊಂಡ ಕ್ರಮಗಳೇನು;

(ಈ) ಸಾರ್ವಜನಿಕರಿಗೆ ಈ ರೋಗದ ಬಗ್ಗೆ ಜಾಗೃತಿ ಮೂಡಿಸಿ ಮನವರಿಕೆ ಮಾಡಿಕೊಡಲು ಫೆಬ್ರವರಿ-4ರಂದು ರಾಜ್ಯ ಸರ್ಕಾರ ವಿಶೇಷವಾಗಿ ಕ್ಯಾನ್ಸರ್ ಅರಿವು ಮೂಡಿಸುವ ದಿನವನ್ನಾಗಿ ಆಚರಿಸದಿರಲು ಕಾರಣಗಳೇನು ; ಮುಂದೆಯಾದರೂ ಸರ್ಕಾರ ಕ್ರಮ ಕೈಗೊಳ್ಳುವುದೇ ?